## ಕರ್ನಾಟಕ ವಿಧಾನ ಪರಿಷತ್ತು

01. ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 268

02. ಮಾನ್ಯ ವಿಧಾನ ಪರಿಷತ್ ಸದಸ್ಯರ ಹೆಸರು : ಶ್ರೀ ಎಸ್.ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು)

03. ಉತ್ತರಿಸುವ ದಿನಾಂಕ : 17/02/2022

04. ಉತ್ತರಿಸುವ ಸಚಿವರು. : ಮಾನ್ಯ ಗೃಹ ಸಚಿವರು

| ಪ್ರಶ್ನೆ | ಉತ್ತರ |
|---|---|
| ಅ) ಕೊಡಗು ಜಿಲ್ಲೆಯಲ್ಲಿ ಇತ್ತೀಚಿನ ದಿನಗಳಲ್ಲಿ ಮಹಿಳೆಯರೇ ಇರುವ ಮತ್ತು ಒಂಟಿ ಮನೆಗಳ ಮೇಲೆ ಅಪರಿಚಿತರಿಂದ ದಾಳಿ, ಹಲ್ಲೆ ಮತ್ತು ದರೋಡೆ ಪ್ರಕರಣಗಳು ಹೆಚ್ಚಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ? | ಹೌದು. |
| ಆ) ಬಂದಿದ್ದಲ್ಲಿ ಈ ರೀತಿಯ ಪ್ರಕರಣಗಳನ್ನು ತಡೆಯಲು ಸರ್ಕಾರ ಏನು ಕ್ರಮಗಳನ್ನು ಕೈಗೊಂಡಿದೆ ; (ವಿವರ ನೀಡುವುದು) | **ಮಹಿಳೆಯರೇ ಇರುವ ಮನೆಗಳು ಮತ್ತು ಒಂಟಿ ಮನೆಗಳ ಮೇಲಿನ ದಾಳಿ ಪ್ರಕರಣಗಳನ್ನು ತಡೆಯಲು ಸರ್ಕಾರವು ಈ ಕೆಳಕಂಡ ಕ್ರಮಗಳನ್ನು ಕೈಗೊಂಡಿರುತ್ತದೆ.**<br>➢ ಕೊಡಗು ಜಿಲ್ಲೆಯಲ್ಲಿ ಗ್ರಾಮ ಗಸ್ತು ಕರ್ತವ್ಯವನ್ನು ನಿರ್ವಹಿಸಲಾಗುತ್ತಿದೆ.<br>➢ ಕೊಡಗು ಜಿಲ್ಲೆಯ ಠಾಣಾ ವ್ಯಾಪ್ತಿಯಲ್ಲಿ ಬರುವ ಒಂಟಿ ಮನೆಗಳು ಹಾಗೂ ಮಹಿಳೆಯರೇ ವಾಸವಿರುವ ಮನೆಗಳನ್ನು ಪಟ್ಟಿಮಾಡಿಕೊಳ್ಳಲಾಗಿದೆ.<br>➢ ಇಂತಹ ಮನೆಗಳು ಇರುವ ಸ್ಥಳಗಳಿಗೆ ಭೇಟಿ ನೀಡಿ ಪ್ರರಿಶೀಲನೆ ಮಾಡಿ, ಗಸ್ತು ವ್ಯವಸ್ಥೆಯನ್ನು ಮಾಡಲಾಗಿರುತ್ತದೆ. |
| ಇ) ಸದರಿ ಪ್ರಕರಣಗಳನ್ನು ತಡೆಯುವ ಸಲುವಾಗಿ ಜಿಲ್ಲೆಯ ಎಲ್ಲಾ ಪೊಲೀಸ್ ಠಾಣೆಗಳಿಗೆ ಪೂರ್ಣ ಪ್ರಮಾಣದಲ್ಲಿ ಸಿಬ್ಬಂದಿ ಹಾಗೂ ಅಧಿಕಾರಿಗಳನ್ನು ಈಗಾಗಲೇ ನಿಯುಕ್ತಿಗೊಳಿಸಲಾಗಿದೆಯೇ ; (ವಿವರ ನೀಡುವುದು)<br>ಈ) ಸದರಿ ಪ್ರಕರಣಗಳ ತಡೆಯುವ ಸಲುವಾಗಿ ಖಾಲಿ ಇರುವ ಹುದ್ದೆಗಳನ್ನು ಕೂಡಲೇ ತುಂಬುವ ಮೂಲಕ ಸೂಕ್ತ ಭದ್ರತಾ ವ್ಯವಸ್ಥೆ ಹಾಗೂ ಹೆಚ್ಚಿನ ಮಟ್ಟದ ಗಸ್ತು ವ್ಯವಸ್ಥೆ ಕಲ್ಪಿಸಲು ಕ್ರಮ ವಹಿಸಲಾಗುವುದೇ ? | ಲಭ್ಯ ಸಿಬ್ಬಂದಿಗಳಲ್ಲಿ ಅಗತ್ಯ ಪ್ರಮಾಣದಲ್ಲಿ ನಿಯುಕ್ತಿಗೊಳಿಸಲಾಗಿದೆ. ಕೊಡಗು ಜಿಲ್ಲೆಯಲ್ಲಿ ಸಿ.ಪಿ.ಸಿ. ಖಾಲಿ ಇರುವ 55 ಸಿ.ಪಿ.ಸಿ. ಹುದ್ದೆಗೆ 2021-22ನೇ ಸಾಲಿನಲ್ಲಿ ನೇಮಕಾತಿಗಾಗಿ ಸರ್ಕಾರ ಅಧಿಸೂಚನೆ 1/RECT-4/2021-22, ದಿನಾಂಕ:21.05.2021 ಯನ್ನು ಹೊರಡಿಸಲಾಗಿದ್ದು ಅದರಂತೆ ತಾತ್ಕಾಲಿಕ ಆಯ್ಕೆಪಟ್ಟಿಯನ್ನು ಈಗಾಗಲೇ ಪ್ರಕಟಿಸಲಾಗಿದ್ದು, ಅದರಂತೆ ಅಭ್ಯರ್ಥಿಗಳಿಗೆ ವೈದ್ಯಕೀಯ ಪರೀಕ್ಷೆ ಹಾಗೂ ದಾಖಲಾತಿ ಪರಿಶೀಲನೆಯು ಪ್ರಸ್ತುತ ಮಡಿಕೇರಿಯಲ್ಲಿ ನಡೆಸಲಾಗುತ್ತಿದೆ.<br>ಕೊಡಗು ಜಿಲ್ಲೆಯಲ್ಲಿ ಒಟ್ಟು 560 ಗ್ರಾಮಗಳಲ್ಲಿ ಗ್ರಾಮ ಗಸ್ತು ಕರ್ತವ್ಯಕ್ಕೆ ಸಿಬ್ಬಂದಿಗಳನ್ನು ನೇಮಿಸಿ ಕರ್ತವ್ಯ ನಿರ್ವಹಿಸಲಾಗುತ್ತಿದೆ. |

**HD 03 PCQ 2022**

(ಆರಗ ಜ್ಞಾನೇಂದ್ರ)
ಗೃಹ ಸಚಿವರು.